

# ಕರ್ನಾಟಕ ವಿಧಾನಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 09-03-2021 ಪ್ರಶ್ನೆ ಸಂಖ್ಯೆ : 675(831)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಆರ್. ಧರ್ಮಸೇನ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 09-03-2021

ಉತ್ತರಿಸುವ ಸಚಿವರು: ಮಾನ್ಯ ಸಣ್ಣ ಕೈಗಾರಿಕೆ ಹಾಗೂ ವಾರ್ತಾ ಮತ್ತು ಸಾರ್ವಜನಿಕ ಸಂಪರ್ಕ ಸಚಿವರು

ವಿಷಯ : ಸಣ್ಣ ಕೈಗಾರಿಕೆಗಳ ಸುಧಾರಣೆ

(ಅ) ಕೇಂದ್ರ ಮತ್ತು ರಾಜ್ಯ ಸರ್ಕಾರದ ನೀತಿ ಹಾಗೂ ಹಲವಾರು ಕಾರಣಗಳಿಂದ ಸಣ್ಣ ಕೈಗಾರಿಕೆಗಳು ಸಂಕಷ್ಟಗಳನ್ನು ಎದುರಿಸುತ್ತಿದ್ದು ಇದರ ಪುನಶ್ಚೇತನಕ್ಕೆ ಸರ್ಕಾರ ಯಾವುದಾದರೂ ಯೋಜನೆ ರೂಪಿಸಿದೆಯೇ;

(ಆ) ಸಣ್ಣ ಕೈಗಾರಿಕೆಗಳ ಅಭಿವೃದ್ಧಿಗಾಗಿ ಹಾಗೂ ಸುಧಾರಣೆಗಾಗಿ ಸರ್ಕಾರದ ಮುಂದಿರುವ ಕಾರ್ಯಕ್ರಮಗಳಾವುವು; ಹಾಗೂ ಸಹಾಯಧನ ನೀಡುವ ಯೋಜನೆ ಇದೆಯೇ;

(ಇ) ಸಣ್ಣ ಕೈಗಾರಿಕೆಗಳಲ್ಲಿ ಕೆಲಸ ಮಾಡುತ್ತಿರುವ ಕಾರ್ಮಿಕರ ಹಿತದೃಷ್ಟಿಯಿಂದ ಯಾವುದಾದರೂ ಹೊಸ ಯೋಜನೆ ರೂಪಿಸಲಾಗಿದೆಯೇ? (ವಿವರಗಳನ್ನು ನೀಡುವುದು)